ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೆರಡನೆಯ ಅಧಿವೇಶನ

ಸೋಮವಾರ, ದಿನಾಂಕ : 07 ನೇ ಡಿಸೆಂಬರ್, 2020

ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಶಾಲೆಗಳು ಆಫ್‌ಲೈನ್‌ನಲ್ಲಿ ಕಾರ್ಯನಿರ್ವಹಿಸದೇ ಶುಲ್ಕ ವಸೂಲಿ ಕುರಿತು

ಶ್ರೀ ಯು. ಬಿ. ವೆಂಕಟೇಶ್(ನಾಮನಿರ್ದೇಶನ ಹೊಂದಿದವರು) –

87 (53) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ಕೋವಿಡ್ ಹಿನ್ನೆಲೆಯಲ್ಲಿ, ರಾಜ್ಯದ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಶಾಲೆಗಳು ಆಫ್‌ಲೈನ್‌ನಲ್ಲಿ ಕಾರ್ಯನಿರ್ವಹಿಸದೇ ಇದ್ದರೂ ಪೋಷಕರಿಂದ ಪ್ರತಿ ವರ್ಷದಂತೆ ಶಿಕ್ಷಣ ಶುಲ್ಕವನ್ನು ಪಡೆಯುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಬಂದಿದ್ದಲ್ಲಿ, ಸರ್ಕಾರ ಈ ಬಗ್ಗೆ ಶಿಕ್ಷಣ ಶುಲ್ಕವನ್ನು ಅರ್ಧದಷ್ಟು ಕಡಿತಗೊಳಿಸುವ ಬಗ್ಗೆ ಕೈಗೊಂಡ ಕ್ರಮಗಳೇನು?